# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : **263**
ವಿಧಾನ ಪರಿಷತ್ ಸದಸ್ಯರ ಹೆಸರು : ಶ್ರೀ ಎನ್ ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಉತ್ತರಿಸುವವರು : ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಮತ್ತು ಸಾರ್ವಜನಿಕ ವಲಯ ಉದ್ಯಮಗಳ ಸಚಿವರು
ಉತ್ತರಿಸಬೇಕಾದ ದಿನಾಂಕ : 14.12.2021

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಯಾವುವು; ಈ ಯೋಜನೆಗಳಡಿ ಕಳೆದ 3 ವರ್ಷಗಳಲ್ಲಿ ಮಂಡ್ಯ ಜಿಲ್ಲೆಯಲ್ಲಿ ಸ್ಥಾಪನೆಯಾದ ಸಣ್ಣ ಕೈಗಾರಿಕೆಗಳಾವುವು; (ಆದೇಶದ ಪ್ರತಿಯೊಂದಿಗೆ ಸಂಪೂರ್ಣ ಮಾಹಿತಿಯನ್ನು ನೀಡುವುದು) | ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಈ ಕೆಳಗಿನಂತಿವೆ.<br><br>1. **ಕೇಂದ್ರ ಸರ್ಕಾರದ ಪ್ರಧಾನಮಂತ್ರಿಗಳ ಉದ್ಯೋಗ ಸೃಜನ ಯೋಜನೆಯಡಿ** ನಗರ ಮತ್ತು ಗ್ರಾಮೀಣ ಪ್ರದೇಶಗಳಲ್ಲಿ ಕೈಗಾರಿಕೆಗಳನ್ನು ಸ್ಥಾಪಿಸಲು ಗರಿಷ್ಠ ಸಾಲ ರೂ. 25 ಲಕ್ಷಗಳವರೆಗೆ ಬ್ಯಾಂಕ್‌ಗಳ ಮೂಲಕ ಸಾಲ ಸೌಲಭ್ಯ ಒದಗಿಸಿ ಸಣ್ಣ ಉದ್ಯಮಗಳನ್ನು ಸ್ಥಾಪಿಸಿ ಸ್ವಯಂ ಉದ್ಯೋಗ ಕೈಗೊಳ್ಳಲು ಅನುಕೂಲ ಒದಗಿಸಲಾಗುವುದು ಹಾಗೂ ಯೋಜನಾ ವೆಚ್ಚದ ಮೇಲೆ ಶೇ. 15 ರಿಂದ ಶೇ.35 ರವರೆಗೆ ಗರಿಷ್ಠ ರೂ.3.75 ಲಕ್ಷದಿಂದ ರೂ.8.75 ಲಕ್ಷದವರೆಗೆ ಸಹಾಯಧನ ನೀಡಲಾಗುತ್ತಿದೆ.<br><br>2. ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳು ಸ್ಥಾಪಿಸಲು ರೂ.5.00 ಕೋಟಿಗಳವರೆಗೆ ಸಾಲ ಪಡೆದು ನಿಗದಿತ ಸಮಯದಲ್ಲಿ ಮರುಪಾವತಿ ಮಾಡಿದ ಅತಿ ಸಣ್ಣ ಮತ್ತು ಸಣ್ಣ ಕೈಗಾರಿಕಾ ಘಟಕಗಳಿಗೆ 5 ವರ್ಷಗಳ ಅವಧಿಗೆ ಶೇಕಡ 6 ರಂತೆ ಬಡ್ಡಿ ಸಹಾಯಧನ ನೀಡಲಾಗುವುದು.<br><br>3. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪ ಯೋಜನೆಯಡಿಯಲ್ಲಿ ಶೇ 75 ರಿಯಾಯಿತಿ ದರದಲ್ಲಿ ಕೈಗಾರಿಕಾ ನಿವೇಶನಗಳನ್ನು (ಗರಿಷ್ಠ 2 ಎಕರೆ) ಮತ್ತು ಕೈಗಾರಿಕಾ ಶೆಡ್‌ಗಳನ್ನು ನೀಡಲಾಗುತ್ತಿದೆ.<br><br>4. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಸ್ವಯಂ ಉದ್ಯೋಗ ಕೈಗೊಳ್ಳಲು ಬ್ಯಾಂಕಿನಿಂದ ಸಾಲ ಒದಗಿಸಿ ಯೋಜನಾ ವೆಚ್ಚದ ಮೇಲೆ ಶೇ 60 ರಷ್ಟು ಗರಿಷ್ಠ ರೂ.5.00 ಲಕ್ಷ ಸಹಾಯಧನ ನೀಡಲಾಗುತ್ತಿದೆ.<br><br>5. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಮೊದಲ ಪೀಳಿಗೆಯ ಉದ್ಯಮಿದಾರರು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಪಡೆದು ಸ್ಥಾಪಿಸುವ ಹೊಸ ಘಟಕಗಳಿಗೆ ಗರಿಷ್ಠ ರೂ.5.00 ಕೋಟಿ ಯೋಜನಾ ವೆಚ್ಚದಲ್ಲಿ The Debt Equity Ratio 2:1 ಪ್ರಕಾರ (2/3 ರಷ್ಟು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಮತ್ತು 1/3 ಪ್ರವರ್ತಕರ ಬಂಡವಾಳ)ಘಟಕಕ್ಕೆ ಪ್ರವರ್ತಕ ಬಂಡವಾಳ ಹೂಡಿಕೆಯ 1/3 ರಲ್ಲಿ ಶೇ.50 ರಷ್ಟು ಬಡ್ಡಿರಹಿತ ಗರಿಷ್ಠ ರೂ.75 ಲಕ್ಷ ಸಾಫ್ಟ್ ಸೀಡ್ ಕ್ಯಾಪಿಟಲ್ ಆರ್ಥಿಕ ಸಹಾಯ ನೀಡಲಾಗುತ್ತಿದೆ.<br><br>6. ದಿನಾಂಕ:01-04-2017 ರಿಂದ ಮೊದಲ ಬಾರಿಗೆ ಪರಿಶಿಷ್ಟ ಜಾತಿ / ಪರಿಶಿಷ್ಟ |

ಪಂಗಡದವರು ಸ್ಥಾಪಿಸುವ ಸಣ್ಣ ಮತ್ತು ಅತೀ ಸಣ್ಣ ಘಟಕಗಳು ಸಾಲ ಪಡೆಯುವ ಸಂದರ್ಭದಲ್ಲಿ ಕೆಎಸ್.ಎಫ್.ಸಿ ಮತ್ತು ಇತರೇ ಹಣಕಾಸು ಸಂಸ್ಥೆಯವರು ವಿಧಿಸಿರುವ ಪರಿಷ್ಕರಣಾ ಶುಲ್ಕ, ಕಾನೂನು ಶುಲ್ಕ, ಏಕಕಾಲಿಕ ಸಾಲ ವಿತರಣಾ ಶುಲ್ಕ ಮತ್ತು ಇತರೆ ಶುಲ್ಕಗಳನ್ನು ಭರಿಸಲಾಗುತ್ತಿದೆ.

7. ಕರ್ನಾಟಕ ರಾಜ್ಯ ಕೈಗಾರಿಕಾ ನೀತಿ 2020-25 ರಂತೆ ಕೆಳಕಾಣಿಸಿದ ಪ್ರೋತ್ಸಾಹ ಮತ್ತು ರಿಯಾಯಿತಿ ಸೌಲಭ್ಯಗಳನ್ನು ಅರ್ಹ ಕೈಗಾರಿಕೆಗಳಿಗೆ ನೀಡಿ ಉತ್ತೇಜಿಸಲಾಗುತ್ತಿದೆ.
    1. ಬಂಡವಾಳ ಹೂಡಿಕೆ ಸಹಾಯಧನ
    2. ಮುದ್ರಾಂಕ ಶುಲ್ಕ ವಿನಾಯಿತಿ
    3. ನೋಂದಣಿ ಶುಲ್ಕ ರಿಯಾಯಿತಿ ಪ್ರಮಾಣಪತ್ರ
    4. ಭೂಪರಿವರ್ತನಾ ಶುಲ್ಕ ಮರುಪಾವತಿ ಸಹಾಯಧನ
    5. ವಿದ್ಯುತ್ ಸಹಾಯಧನ
    6. ವಿದ್ಯುತ್ ತೆರಿಗೆ ವಿನಾಯಿತಿ ಪ್ರಮಾಣಪತ್ರ
    7. ತ್ಯಾಜ್ಯನೀರು ಸಂಸ್ಕರಣಾ ಘಟಕ ಸ್ಥಾಪನೆ ಸಹಾಯಧನ
    8. ರಫ್ತು ಘಟಕಗಳಿಗೆ ಪ್ರೋತ್ಸಾಹಗಳು
    9. ತಾಂತ್ರಿಕ ಉನ್ನತೀಕರಣ, ಗುಣಮಟ್ಟ ಪ್ರಮಾಣ ಪತ್ರ ಸಹಾಯಧನ
    10. ಮಳೆ ನೀರುಕೊಯ್ಲು / ಸಂರಕ್ಷಣೆ ಸಹಾಯಧನ
    11. ತಂತ್ರಜ್ಞಾನ ಉನ್ನತೀಕರಣಕ್ಕೆ ಬಡ್ಡಿ ಸಹಾಯಧನ

**ವರ್ಷವಾರು ಮತ್ತು ಯೋಜನೆವಾರು ಅಡಿಯಲ್ಲಿ ಮಂಡ್ಯ ಜಿಲ್ಲೆಯಲ್ಲಿ ಸ್ಥಾಪನೆಯಾದ ಕೈಗಾರಿಕೆಗಳ ವಿವರಗಳು ಈ ಕೆಳಗಿನಂತಿವೆ.**

| ಯೋಜನೆ | 2018-19 | 2019-20 | 2020-21 |
|---|---|---|---|
| ಪ್ರಧಾನಮಂತ್ರಿ ಉದ್ಯೋಗ ಸೃಜನೆ ಯೋಜನೆ, ಮುಖ್ಯಮಂತ್ರಿ ಸ್ವಯಂ ಉದ್ಯೋಗ ಸೃಜನೆ ಯೋಜನೆ, ವಿಶೇಷ ಘಟಕ ಉಪ ಯೋಜನೆ, ಗಿರಿಜನ ಉಪ ಯೋಜನೆ, ಈ ಯೋಜನೆಗಳನ್ನು ಒಳಗೊಂಡು ಬ್ಯಾಂಕ್‌ಗಳಿಂದ ಸಾಲ ಪಡೆದು / ಸ್ವಂತ ಬಂಡವಾಳದಿಂದ ಉದ್ಯಮಶೀಲರು ಸ್ಥಾಪಿಸಿದ ಕೈಗಾರಿಕೆಗಳು | 334 | 631 | 1990 |

ಮುಖ್ಯಮಂತ್ರಿಯವರ ಸ್ವಯಂ ಉದ್ಯೋಗ ಸೃಜನೆ ಯೋಜನೆ ಮತ್ತು ಪ್ರಧಾನಮಂತ್ರಿಯವರ ಉದ್ಯೋಗ ಸೃಜನೆ ಯೋಜನೆಗಳ ಅನುದಾನ ಆನ್‌ಲೈನ್ ಮೂಲಕ ಬ್ಯಾಂಕ್‌ಗಳಿಗೆ ಮಾಹಿತಿ ರವಾನೆ ಆಗುವುದರಿಂದ ಆದೇಶಗಳು ಇರುವುದಿಲ್ಲ.

ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳು ಕೈಗಾರಿಕೆ ಮತ್ತು ವಾಣಿಜ್ಯ ಇಲಾಖೆಯಿಂದ ಯಾವುದೇ ಆದೇಶ ಪಡೆದು ಸ್ಥಾಪಿಸುವ ಅಗತ್ಯವಿಲ್ಲ. ಆ ಕೈಗಾರಿಕೆಗಳು ಸ್ಥಾಪನೆಯಾದ ಬಗ್ಗೆ ಅಂತರ್‌ಜಾಲ ತಾಣದಲ್ಲಿ ತಮ್ಮ ವಿವರಗಳನ್ನು ಸರ್ಕಾರಕ್ಕೆ ಸಲ್ಲಿಸಿ ಸ್ವೀಕೃತಿಯನ್ನು ಮಾತ್ರ ಪಡೆಯಬೇಕಾಗುತ್ತದೆ.

| | | |
|---|---|---|
| ಆ) | ಮಂಡ್ಯ ಜಿಲ್ಲಾ ವ್ಯಾಪ್ತಿಯಲ್ಲಿ ಯಾವ ಯಾವ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಅವಕಾಶಗಳಿವೆ; ಸಣ್ಣ | ಮಂಡ್ಯ ಜಿಲ್ಲಾ ವ್ಯಾಪ್ತಿಯಲ್ಲಿ ಈ ಕೆಳಗಿನ ವಲಯಗಳ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಅವಕಾಶಗಳಿವೆ<br>1. ಆಹಾರ ಆಧಾರಿತ,<br>2. ಟೆಕ್ಸ್‌ಟೈಲ್ಸ್ ಆಧಾರಿತ, |

| | | |
|---|---|---|
| | ಕೈಗಾರಿಕೆಗಳ ಒಂದು ಕೈಗಾರಿಕಾ ಪ್ರದೇಶ ಸ್ಥಾಪಿಸಲು ಇರುವಂತಹ ಮಾನದಂಡಗಳೇನು; (ಸಂಪೂರ್ಣ ವಿವರ ನೀಡುವುದು) | 3. ಗ್ರಾನೈಟ್ ಕಲ್ಲು ಆಧಾರಿತ,<br>4. ಜನರಲ್ ಇಂಜಿನಿಯರಿಂಗ್,<br>5. ತೆಂಗಿನ ನಾರಿನ ಉತ್ಪನ್ನಗಳು,<br>6. ಕಾಫಿ ಪುಡಿ ತಯಾರಿಕಾ ಘಟಕಗಳು,<br>7. ಮರದ ಪೀಠೋಪಕರಣಗಳು<br>8. ಕಟ್ಟಡ ಸಾಮಗ್ರಿಗಳು,<br>9. ಜಲ್ಲಿ ಕಲ್ಲು ತಯಾರಿಕೆ,<br>10. ಸಿಮೆಂಟ್ ಹಾಲೋಬ್ರಿಕ್ಸ್,<br>11. ಕೆಮಿಕಲ್ಸ್ ಇಂಡಸ್ಟ್ರೀಸ್,<br>12. ಆಯುರ್ವೇದ ಔಷಧಿಗಳ ತಯಾರಿಕೆ<br><br>ಮಂಡ್ಯ ಜಿಲ್ಲೆಯಲ್ಲದೇ ಇತರೆ ಜಿಲ್ಲೆಗಳಲ್ಲಿ ಕೈಗಾರಿಕಾ ಪ್ರದೇಶಗಳನ್ನು ಸ್ಥಾಪಿಸಲು ಈ ಕೆಳಗಿನ ಅಂಶಗಳನ್ನು ಪರಿಗಣಿಸಲಾಗುತ್ತದೆ.<br><br>1. ಜಿಲ್ಲಾ ವ್ಯಾಪ್ತಿಯಲ್ಲಿ ದೊರೆಯುವ ಕಚ್ಚಾಮಾಲು,<br>2. ಮಾರುಕಟ್ಟೆ ಬೇಡಿಕೆ,<br>3. ತಂತ್ರಜ್ಞರ ಮತ್ತು ಕಾರ್ಮಿಕರ ಲಭ್ಯತೆ,<br>4. ಪರಿಸರ ಸಂರಕ್ಷಣೆ,<br>5. ನೀರಿನ ಲಭ್ಯತೆ,<br>6. ವಿದ್ಯುತ್ ಲಭ್ಯತೆ,<br>7. ಉದ್ಯಮಶೀಲರಿಂದ ಕೈಗಾರಿಕೆ ಸ್ಥಾಪಿಸಲು ನಿವೇಶನದ ಬೇಡಿಕೆ<br>8. ಜಿಲ್ಲೆಯ ಅಭಿವೃದ್ಧಿಗೆ ಪೂರಕವಾದ ಅಂಶಗಳು ಮತ್ತು ನೀತಿ |
| ಇ) | ಪರಿಶಿಷ್ಟ ಜಾತಿ/ಪರಿಶಿಷ್ಟ ವರ್ಗ ಮತ್ತು ಹಿಂದುಳಿದ ವರ್ಗದವರು ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರದ ವತಿಯಿಂದ ಯಾವ ಯಾವ ಯೋಜನೆಗಳನ್ನು ರೂಪಿಸಿ ಅವರಿಗೆ ಸಾಲ ಸೌಲಭ್ಯ ಸಹಾಯಧನ ನೀಡಲಾಗುತ್ತಿದೆ? (ಸಂಪೂರ್ಣ ವಿವರ ನೀಡುವುದು) | ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗ ಮತ್ತು ಹಿಂದುಳಿದ ವರ್ಗದವರಿಗೆ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರದ ವತಿಯಿಂದ ಈ ಕೆಳಗಿನ ಯೋಜನೆಗಳನ್ನು ರೂಪಿಸಿ ಅವರಿಗೆ ಸಾಲ ಸೌಲಭ್ಯ, ಸಹಾಯ ಧನ ನೀಡಲಾಗುತ್ತಿದೆ<br><br>**<u>ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗ ಮತ್ತು ಹಿಂದುಳಿದ ವರ್ಗದವರಿಗೆ ಹಾಗೂ ಇತರೆ ವರ್ಗದವರಿಗೆ</u>**<br><br>1. **ಕೇಂದ್ರ ಸರ್ಕಾರದ ಪ್ರಧಾನಮಂತ್ರಿಗಳ ಉದ್ಯೋಗ ಸೃಜನ ಯೋಜನೆಯಡಿ** ನಗರ ಮತ್ತು ಗ್ರಾಮೀಣ ಪ್ರದೇಶಗಳಲ್ಲಿ ಕೈಗಾರಿಕೆಗಳನ್ನು ಸ್ಥಾಪಿಸಲು ಗರಿಷ್ಠ ಸಾಲ ರೂ. 25 ಲಕ್ಷಗಳವರೆಗೆ, ಬ್ಯಾಂಕ್‌ಗಳ ಮೂಲಕ ಸಾಲ ಸೌಲಭ್ಯ ಒದಗಿಸಿ ಸಣ್ಣ ಉದ್ಯಮಗಳನ್ನು ಸ್ಥಾಪಿಸಿ ಸ್ವಯಂ ಉದ್ಯೋಗ ಕೈಗೊಳ್ಳಲು ಅನುಕೂಲ ಒದಗಿಸಲಾಗುವುದು ಹಾಗೂ ಯೋಜನಾ ವೆಚ್ಚದ ಮೇಲೆ ಶೇ. 15 ರಿಂದ ಶೇ.35 ರವರೆಗೆ ಗರಿಷ್ಠ ರೂ.3.75 ಲಕ್ಷದಿಂದ ರೂ.8.75 ಲಕ್ಷದವರೆಗೆ ಸಹಾಯಧನ ನೀಡಲಾಗುತ್ತಿದೆ.<br><br>2. ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳು ಸ್ಥಾಪಿಸಲು ರೂ.5.00 ಕೋಟಿಗಳವರೆಗೆ ಸಾಲ ಪಡೆದು ನಿಗದಿತ ಸಮಯದಲ್ಲಿ ಮರುಪಾವತಿ ಮಾಡಿದ ಅತಿ ಸಣ್ಣ ಮತ್ತು ಸಣ್ಣ ಕೈಗಾರಿಕಾ ಘಟಕಗಳಿಗೆ 5 ವರ್ಷಗಳ ಅವಧಿಗೆ ಶೇಕಡ 6% ರಂತೆ ಬಡ್ಡಿ ಸಹಾಯಧನ ನೀಡಲಾಗುವುದು.<br><br>3. ಹೊಸ ಕೈಗಾರಿಕಾ ನೀತಿ 2020-25 ರನ್ವಯ ಈ ಕೆಳಗಿನ ಸಹಾಯಧನವನ್ನು ಹೊಸದಾಗಿ ಬಂಡವಾಳ ಹೂಡಿರುವ/ವಿಸ್ತರಣೆ/ವೈವಿಧ್ಯೀಕರಣ/ಆಧುನೀಕರಣ ಕಾರ್ಯಕ್ರಮ ಕೈಗೊಂಡಿರುವ ಸೂಕ್ಷ್ಮ, ಸಣ್ಣ ಮತ್ತು ಮಧ್ಯಮ ಕೈಗಾರಿಕೆಗಳಿಗೆ ನೀಡಲಾಗಿರುತ್ತದೆ. |

| | | |
|---|---|---|
| | | 1. ಬಂಡವಾಳ ಹೂಡಿಕೆ ಸಹಾಯಧನ<br>2. ಮುದ್ರಾಂಕ ಶುಲ್ಕ ವಿನಾಯಿತಿ<br>3. ನೋಂದಣಿ ಶುಲ್ಕ ರಿಯಾಯಿತಿ ಪ್ರಮಾಣಪತ್ರ<br>4. ಭೂಪರಿವರ್ತನಾ ಶುಲ್ಕ ಮರುಪಾವತಿ ಸಹಾಯಧನ<br>5. ವಿದ್ಯುತ್ ಸಹಾಯಧನ<br>6. ವಿದ್ಯುತ್ ತೆರಿಗೆ ವಿನಾಯಿತಿ ಪ್ರಮಾಣಪತ್ರ<br>7. ತ್ಯಾಜ್ಯನೀರು ಸಂಸ್ಕರಣಾ ಘಟಕ ಸ್ಥಾಪನೆ ಸಹಾಯಧನ<br>8. ರಫ್ತು ಘಟಕಗಳಿಗೆ ಪ್ರೋತ್ಸಾಹಗಳು<br>9. ತಾಂತ್ರಿಕ ಉನ್ನತೀಕರಣ, ಗುಣಮಟ್ಟ ಪ್ರಮಾಣ ಪತ್ರ ಸಹಾಯಧನ<br>10. ಮಳೆ ನೀರುಕೊಯ್ಲು / ಸಂರಕ್ಷಣೆ ಸಹಾಯಧನ<br>11. ತಂತ್ರಜ್ಞಾನ ಉನ್ನತೀಕರಣಕ್ಕೆ ಬಡ್ಡಿ ಸಹಾಯಧನ<br><br>**ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗದವರರಿಗೆ ಮಾತ್ರ:**<br>1. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಸ್ವಯಂ ಉದ್ಯೋಗ ಕೈಗೊಳ್ಳಲು ಬ್ಯಾಂಕಿನಿಂದ ಸಾಲ ಒದಗಿಸಿ ಯೋಜನಾ ವೆಚ್ಚದ ಮೇಲೆ ಶೇ 60 ರಷ್ಟು ಗರಿಷ್ಠ ರೂ.5.00 ಲಕ್ಷ ಸಹಾಯಧನ ನೀಡಲಾಗುತ್ತಿದೆ.<br><br>2. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಮೊದಲ ಪೀಳಿಗೆಯ ಉದ್ಯಮಿದಾರರು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಪಡೆದು ಸ್ಥಾಪಿಸುವ ಹೊಸ ಘಟಕಗಳಿಗೆ ಗರಿಷ್ಠ ರೂ.5.00 ಕೋಟಿ ಯೋಜನಾ ವೆಚ್ಚದಲ್ಲಿ The Debt Equity Ratio 2:1 ಪ್ರಕಾರ (2/3 ರಷ್ಟು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಮತ್ತು 1/3 ಪ್ರವರ್ತಕರ ಬಂಡವಾಳ) ಘಟಕಕ್ಕೆ ಪ್ರವರ್ತಕ ಬಂಡವಾಳ ಹೂಡಿಕೆಯ 1/3 ರಲ್ಲಿ ಶೇ.50 ರಷ್ಟು ಬಡ್ಡಿ ರಹಿತ ಗರಿಷ್ಠ ರೂ.75 ಲಕ್ಷ ಸಾಫ್ಟ್ ಸೀಡ್ ಕ್ಯಾಪಿಟಲ್ ಆರ್ಥಿಕ ಸಹಾಯ ನೀಡಲಾಗುತ್ತಿದೆ.<br><br>3. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ವರ್ಗದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಶೇ 75 ರಿಯಾಯಿತಿ ದರದಲ್ಲಿ ಕೈಗಾರಿಕಾ ನಿವೇಶನಗಳನ್ನು (ಗರಿಷ್ಠ 2 ಎಕರೆ) ಮತ್ತು ಕೈಗಾರಿಕಾ ಶೆಡ್‌ಗಳನ್ನು ನೀಡಲಾಗುತ್ತಿದೆ. |

ಸಿಐ 196 ಎಸ್‌ಎಸ್‌ಐ 2021

(ಎನ್.ನಾಗರಾಜು (ಎಂ.ಟಿ.ಬಿ))
ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ
ಸಾರ್ವಜನಿಕ ವಲಯ ಉದ್ಯಮಗಳ ಸಚಿವರು